ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಗ್ರಾಮ ಪಂಚಾಯಿತಿಗಳಲ್ಲಿ ಕೆಲಸ ಮಾಡುತ್ತಿರುವ ಪೌರಕಾರ್ಮಿಕರನ್ನು ಖಾಯಂಗೊಳಿಸುವ ಬಗ್ಗೆ

ಶ್ರೀ ಆರ್. ಪ್ರಸನ್ನ ಕುಮಾರ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1365 (1572) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಗ್ರಾಮ ಪಂಚಾಯಿತಿಗಳಲ್ಲಿ ಹಲವಾರು ವರ್ಷಗಳಿಂದ ಕೆಲಸ ಮಾಡುತ್ತಿರುವ ಪೌರಕಾರ್ಮಿಕರನ್ನು ಖಾಯಂಗೊಳಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ;

(ಆ) ಹಲವಾರು ವರ್ಷಗಳಿಂದ ಕಾರ್ಯನಿರ್ವಹಿಸುತ್ತಿರುವ ಪೌರ ಕಾರ್ಮಿಕರು ನಿವೃತ್ತಿ ಅಂಚಿನಲ್ಲಿದ್ದರೂ ಸಹ ಅವರುಗಳು ಸವಲತ್ತುಗಳಿಂದ ವಂಚಿತರಾಗುತ್ತಿದ್ದು, ಅಂತಹ ಕಾರ್ಮಿಕರನ್ನು ಖಾಯಂಗೊಳಿಸಿ ಅವರಿಗೆ ಸಿಗಬೇಕಾದ ಸವಲತ್ತುಗಳನ್ನು ನೀಡಲು ಸರ್ಕಾರ ಕ್ರಮ ಕೈಗೊಂಡಿದೆಯೇ;

(ಇ) ಪೌರಕಾರ್ಮಿಕರು ಕೆಲಸ ಮಾಡುವ ಸಮಯದಲ್ಲಿ ಆರೋಗ್ಯದಲ್ಲಿ ಏರುಪೇರು ಆದಾಗ ಮತ್ತು ಅಪಘಾತಗಳು ಸಂಭವಿಸಿದಾಗ ಅವರಿಗೆ ಯಾವ ರೀತಿ ಸೌಲಭ್ಯಗಳನ್ನು ನೀಡಲಾಗುತ್ತಿದೆ?